ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 10 ನೇ ಮಾರ್ಚ್, 2020

ರಾಜ್ಯದಲ್ಲಿ ಸ್ಥಾಪನೆಯಾಗುವ ಉದ್ಯಮಗಳಲ್ಲಿ ಕನ್ನಡಿಗರಿಗೆ ಆದ್ಯತೆ ನೀಡುವ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

512 (754) ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಸ್ಥಾಪನೆಯಾಗುವ ಉದ್ಯಮಗಳಲ್ಲಿ ಕನ್ನಡಿಗರಿಗೆ ಉದ್ಯೋಗ ನೀಡುವ ಕುರಿತು ಹಲವಾರು ಬಾರಿ ಕೂಗು ಕೇಳಿ ಬಂದಿದ್ದು ಈ ಬಗ್ಗೆ ಸರ್ಕಾರ ಯಾವ ಕ್ರಮ ಕೈಗೊಂಡಿದೆ;

(ಆ) ರಾಜ್ಯದಲ್ಲಿ ಸ್ಥಾಪನೆಯಾಗುವ ಉದ್ದಿಮೆಗಳಲ್ಲಿ ಕನ್ನಡಿಗರಿಗೆ ಉದ್ಯೋಗ ನೀಡುವುದನ್ನು ಕಡ್ಡಾಯಗೊಳಿಸಲಾಗುವುದೇ ;

(ಇ) ಡಾ|| ಸರೋಜಿನಿ ಮಹಿಷಿರವರ ವರದಿಯನ್ನು ಅನುಷ್ಠಾನಕ್ಕೆ ತರುವ ಯೋಚನೆ ಸರ್ಕಾರಕ್ಕಿದೆಯೇ ;

(ಈ) ಇದ್ದಲ್ಲಿ, ಇದನ್ನು ಯಾವಾಗ ಅನುಷ್ಠಾನಕ್ಕೆ ತರಲಾಗುವುದು ?